# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ | 48 (361) |
| ಸದಸ್ಯರ ಹೆಸರು | ಶ್ರೀಮತಿ ಎಸ್ ವೀಣಾ ಅಚ್ಚಯ್ಯ |
| ಉತ್ತರಿಸುವ ದಿನಾಂಕ | 03-02-2021 |
| ಉತ್ತರಿಸುವವರು | ಹಿಂದೂ ಧಾರ್ಮಿಕ ಮತ್ತು ಧರ್ಮಾದಾಯ ದತ್ತಿ, ಹಾಗೂ ಬಂದರು ಮತ್ತು ಒಳನಾಡು ಜಲಸಾರಿಗೆ ಸಚಿವರು |

| ಕ್ರ ಸಂ | ಪ್ರಶ್ನೆ | ಉತ್ತರ |
|---|---|---|
| ಅ) | ದೇಶದ ಅತ್ಯಂತ ಪವಿತ್ರ ಧಾರ್ಮಿಕ ಶ್ರದ್ಧಾ ಕೇಂದ್ರಗಳಲ್ಲಿ ಒಂದಾದ, ಕೊಡಗು ಜಿಲ್ಲೆಯಲ್ಲಿನ ತಲಕಾವೇರಿಯಲ್ಲಿ ಪ್ರವಾಸಿಗರು ತಮ್ಮ ಭೇಟಿಯ ಸಂದರ್ಭದಲ್ಲಿ ಧಾರ್ಮಿಕ ನಂಬಿಕೆಗಳಿಗೆ ಧಕ್ಕೆ ಬರುವ ರೀತಿಯಲ್ಲಿ ನಡೆದುಕೊಳ್ಳುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; | ಕೊಡಗು ಜಿಲ್ಲೆಯ ತಲಕಾವೇರಿಯಲ್ಲಿ ಪ್ರವಾಸಿಗರು ತಮ್ಮ ಭೇಟಿಯ ಸಂದರ್ಭದಲ್ಲಿ ಧಾರ್ಮಿಕ ನಂಬಿಕೆಗಳಿಗೆ ಧಕ್ಕೆ ಬರುವ ರೀತಿಯಲ್ಲಿ ನಡೆದುಕೊಳ್ಳುತ್ತಿರುವ ಪ್ರಕರಣಗಳು ಕಂಡು ಬಂದಿರುವುದಿಲ್ಲ. |
| ಆ) | ಬಂದಿದ್ದಲ್ಲಿ, ಪವಿತ್ರ ಧಾರ್ಮಿಕ ಶ್ರದ್ಧಾ ಕೇಂದ್ರವಾದ ತಲಕಾವೇರಿಯನ್ನು ಪ್ರವಾಸಿ ತಾಣದ ರೀತಿಯಲ್ಲಿ ಪರಿಗಣಿಸಿ, ಧಾರ್ಮಿಕ ಶ್ರದ್ಧೆಗೆ ವಿರುದ್ಧದ ರೀತಿಯ ಚಟುವಟಿಕೆಗಳನ್ನು ಮಾಡುತ್ತಿರುವ ಪ್ರವಾಸಿಗರಿಗೆ ನಿರ್ಬಂಧಗಳನ್ನು ವಿಧಿಸುವ ಮೂಲಕ ಕ್ಷೇತ್ರದ ಧಾರ್ಮಿಕ ಪಾವಿತ್ರ್ಯತೆಯನ್ನು ಕಾಪಾಡಲು ಸರ್ಕಾರ ಕ್ರಮ ವಹಿಸುವುದೇ; | ಅನ್ವಯಿಸುವುದಿಲ್ಲ. |
| ಇ) | ತಲಕಾವೇರಿ ಕ್ಷೇತ್ರದಲ್ಲಿ ಧಾರ್ಮಿಕ ಚಟುವಟಿಕೆಗಳಿಗೆ ಮಾತ್ರ ಅವಕಾಶವಿರುವಂತೆ ಸ್ಪಷ್ಟ ಹಾಗೂ ಕಡ್ಡಾಯ ಮಾರ್ಗಸೂಚಿಗಳನ್ನು ಅಳವಡಿಸಿ, ಅವುಗಳ ಪಾಲನೆಯಾಗುವಂತೆ ಸರ್ಕಾರ ಸೂಕ್ತ ಕ್ರಮ ಕೈಗೊಳ್ಳುವುದೇ? | ತಲಕಾವೇರಿ ಶ್ರೀಕ್ಷೇತ್ರದಲ್ಲಿ ಧಾರ್ಮಿಕ ಚಟುವಟಿಕೆಗಳಿಗೆ ಮಾತ್ರ ಅವಕಾಶವಿರುವಂತೆ ಸ್ಪಷ್ಟ ಹಾಗೂ ಕಡ್ಡಾಯ ಮಾರ್ಗಸೂಚಿಗಳನ್ನು ಅಳವಡಿಸಲಾಗಿದ್ದು, ದೇವಾಲಯದ ಮುಂಭಾಗದಲ್ಲಿ ನಾಮಫಲಕಗಳನ್ನು ಅಳವಡಿಸಿ ಮಾರ್ಗಸೂಚಿಗಳನ್ನು ಪಾಲಿಸಲಾಗುತ್ತಿದೆ. |

ಸಂಖ್ಯೆ: ಕಂಇ 21 ಮುಸಪ್ರ 2021

(ಕೋಟ ಶ್ರೀನಿವಾಸ ಪೂಜಾರಿ)
ಹಿಂದೂ ಧಾರ್ಮಿಕ ಮತ್ತು ಧರ್ಮಾದಾಯ ದತ್ತಿ
ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು.